ಕರ್ನಾಟಕ ವಿಧಾನ ಪರಿಷತ್ತು

1). ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 1511

2). ಸದಸ್ಯರ ಹೆಸರು : ಶ್ರೀ ಎಂ.ಎ.ಗೋಪಾಲಸ್ವಾಮಿ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

3). ಉತ್ತರಿಸುವ ದಿನಾ : 19.03.2020

4). ಉತ್ತರಿಸುವ ಸಚಿವರು : ಮಾನ್ಯ ಮುಖ್ಯಮಂತ್ರಿಯವರು

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| (ಅ) | ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ನಿಧಿಯ ಅನುದಾನವನ್ನು ಬಿಡುಗಡೆ ಮಾಡುವಲ್ಲಿವಿಳಂಬವಾಗುತ್ತಿರುವುದರಿಂದ ಸ್ಥಳೀಯ ಅಭಿವೃದ್ಧಿಗೆ ಕಾರ್ಯಗಳಿಗೆ ತೊಂದರೆಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ, ಶಾಸಕರ ಪ್ರದೇಶಾಭಿವೃದ್ಧಿ ಅನುದಾನವನ್ನು ಕಾಲ ಕಾಲಕ್ಕೆ ಬಿಡುಗಡೆ ಮಾಡುವ ನಿಟ್ಟಿನಲ್ಲಿ ಕ್ರಮ ಕೈಗೊಳ್ಳಲಾಗಿದೆಯೇ; (ಮಾಹಿತಿನೀಡುವುದು) | ದಿನಾಂಕ;01.04.2019ರ ಅಂತ್ಯಕ್ಕೆ ಜಿಲ್ಲಾಧಿಕಾರಿಗಳ ಉಳಿತಾಯ ಖಾತೆಯಲ್ಲಿ ರೂ.948.97 ಕೋಟಿಗಳು ಇದ್ದರೂ, 2019-20ನೇ ಸಾಲಿನಲ್ಲಿ ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯಡಿ ಎರಡು ಕಂತುಗಳ ಅನುದಾನ ರೂ.299.67 ಕೋಟಿಗಳನ್ನು ಬಿಡುಗಡೆಗೊಳಿಸಲಾಗಿದೆ.<br>ಮಾನ್ಯ ಶಾಸಕರುಗಳು ಸಲ್ಲಿಸುವ ಕ್ರಿಯಾ ಯೋಜನೆಯ ಪ್ರಸ್ತಾವನೆಗಳಿಗೆ ವಾರ್ಷಿಕ ರೂ.2.00 ಕೋಟಿಗಳ ಮಿತಿಗೊಳಪಟ್ಟು ಆಡಳಿತಾತ್ಮಕ ಅನುಮೋದನೆ ನೀಡಲು ನಿರ್ದೇಶನ ನೀಡಲಾಗಿದೆ. |
| (ಆ) | ಹಾಲಿ ನೀಡಲಾಗುತ್ತಿರುವ ಶಾಸಕರ ಸ್ಥಳೀಯ ಪ್ರದೇಶಾಭಿವೃದ್ಧಿ ನಿಧಿಯ ಅನುದಾನ ವಾರ್ಷಿಕ ಎರಡು ಕೋಟಿ ರೂಪಾಯಿಗಳಲ್ಲಿ ಅಭಿವೃದ್ಧಿ ಕಾಮಗಾರಿಗಳನ್ನು ಕೈಗೊಳ್ಳಲು ಕಷ್ಟವಾಗಿರುವುದು ಸರ್ಕಾರದ ಗಮನಕ್ಕೆ ಬಂದಿದೇಯೇ; ಬಂದಿದ್ದಲ್ಲಿ, ಈ ಅನುದಾನವನ್ನು ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿದೆಯೇ; ಹಾಗಿದ್ದಲ್ಲಿ ಶಾಸಕರ ಪ್ರದೇಶಾಭಿವೃದ್ಧಿ ನಿಧಿಯ ಅನುದಾನವನ್ನು ಎಷ್ಟು ಹೆಚ್ಚಳ ಮಾಡಲಾಗುವುದು ಮತ್ತು ಯಾವಾಗ ಹೆಚ್ಚಳ ಮಾಡಲಾಗುವುದು? (ಮಾಹಿತಿನೀಡುವುದು) | ಶಾಸಕರುಗಳ ಸ್ಥಳೀಯ ಪ್ರದೇಶಾಭಿವೃದ್ಧಿ ಯೋಜನೆಯಡಿ ನಿಗದಿಯಾಗುವ ರೂ.2.00 ಕೋಟಿಗಳನ್ನು ಆಯಾ ವರ್ಷದಲ್ಲಿ ಬಳಕೆ ಮಾಡಲು ಅವಕಾಶವಿದ್ದರೂ ಸಹ ನಿಗದಿಯಾಗಿರುವ ಅನುದಾನ ಪೂರ್ಣ ಪ್ರಮಾಣದಲ್ಲಿ ಬಳಕೆಯಾಗದೇ ದಿನಾಂಕ:01.04.2019ರ ಅಂತ್ಯಕ್ಕೆ ಜಿಲ್ಲಾಧಿಕಾರಿಗಳ ಉಳಿತಾಯ ಖಾತೆಯಲ್ಲಿ ರೂ.948.97 ಕೋಟಿಗಳು ಉಳಿಕೆಯಾಗಿರುತ್ತದೆ.<br>ಅನುದಾನವನ್ನು ರೂ.2.00 ಕೋಟಿಗಳಿಗಿಂತ ಹೆಚ್ಚಿಸುವ ಪ್ರಸ್ತಾವನೆ ಸರ್ಕಾರದ ಮುಂದಿರುವುದಿಲ್ಲ. |

ಸಂಖ್ಯೆ: ಪಿಡಿಎಸ್ 25 ಕೆಎಲ್ಎಸ್ 2020

(ಬಿ.ಎಸ್.ಯಡಿಯೂರಪ್ಪ)
ಮುಖ್ಯಮಂತ್ರಿ